ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ಮಹಿಳಾ ಮತ್ತು ಮಕ್ಕಳ ಕಲ್ಯಾಣ ಇಲಾಖೆಯಲ್ಲಿ ಹುದ್ದೆಗಳನ್ನು ತುಂಬುವ ಬಗ್ಗೆ

ಶ್ರೀ ಗೋವಿಂದ ರಾಜು (ವಿಧಾನ ಸಭೆಯಿಂದ ಚುನಾಯಿತರಾದವರು) :-

419(373) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕೋಲಾರ ಜಿಲ್ಲೆಯ ಮಹಿಳಾ ಮತ್ತು ಮಕ್ಕಳ ಕಲ್ಯಾಣ, ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಇಲಾಖೆಗೆ ಮಂಜೂರಾಗಿರುವ ಒಟ್ಟು ಹುದ್ದೆಗಳ ಸಂಖ್ಯೆ ಎಷ್ಟು; (ಇಲಾಖಾವಾರು ಮತ್ತು ವೃಂದಗಳವಾರು ವಿವರಗಳನ್ನು ನೀಡುವುದು)

(ಆ) ಇವುಗಳಲ್ಲಿ ಹಾಲಿ ಕಾರ್ಯ ನಿರ್ವಹಿಸುತ್ತಿರುವ ಹುದ್ದೆಗಳು ಯಾವುವು ಮತ್ತು ಖಾಲಿ ಇರುವ ಹುದ್ದೆಗಳು ಯಾವುವು; (ಇಲಾಖಾವಾರು ಮತ್ತು ವೃಂದಗಳವಾರು ವಿವರಗಳನ್ನು ನೀಡುವುದು)

(ಇ) ಈ ಹುದ್ದೆಗಳು ಎಷ್ಟು ವರ್ಷಗಳಿಂದ ಖಾಲಿ ಇವೆ; ಖಾಲಿ ಇರುವ ಹುದ್ದೆಗಳನ್ನು ತುಂಬಲು ಸರ್ಕಾರಕ್ಕಿರುವ ತೊಂದರೆಗಳೇನು;

(ಈ) ಹುದ್ದೆಗಳು ಖಾಲಿ ಇರುವುದರಿಂದ ಸಾರ್ವಜನಿಕರ ಕೆಲಸ ಕಾರ್ಯಗಳಿಗೆ ತೊಂದರೆಯಾಗುತ್ತಿರುವುದು ನಿಜವೇ;

(ಉ) ಹಾಗಿದ್ದಲ್ಲಿ, ಖಾಲಿ ಇರುವ ಹುದ್ದೆಗಳನ್ನು ಯಾವ ಕಾಲಮಿತಿಯೊಳಗಾಗಿ ತುಂಬಲಾಗುವುದು; (ವಿವರಗಳನ್ನು ನೀಡುವುದು)

(ಊ) ಕೋಲಾರ ಜಿಲ್ಲೆಯಲ್ಲಿರುವ ಮಹಿಳಾ ಮತ್ತು ಮಕ್ಕಳ ಕಲ್ಯಾಣ, ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಇಲಾಖೆಯು ಕಾರ್ಯನಿರ್ವಹಿಸುತ್ತಿರುವ ಕಟ್ಟಡವು ತುಂಬ ದುಸ್ಥಿತಿಯಲ್ಲಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಋ) ಹಾಗಿದ್ದಲ್ಲಿ, ಸದರಿ ಕಟ್ಟಡವನ್ನು ದುರಸ್ಥಿಪಡಿಸಿ ನವೀಕರಣಗೊಳಿಸಲು ಸರ್ಕಾರ ಕ್ರಮ ಕೈಗೊಳ್ಳುವುದೇ; ಹಾಗಿದ್ದಲ್ಲಿ, ಇದಕ್ಕಾಗಿ ಸರ್ಕಾರ ಅನುದಾನವೆನ್ನೇನಾದರೂ ನಿಗಧಿಪಡಿಸಿದೆಯೇ; ನಿಗದಿಪಡಿಸಿದ್ದಲ್ಲಿ, ದುರಸ್ಥಿ ಕಾಮಗಾರಿಯನ್ನು ಯಾವಾಗ ಕೈಗೆತ್ತಿಕೊಳ್ಳಲಾಗುವುದು? (ವಿವರಗಳನ್ನು ನೀಡುವುದು)